ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು
ನೂರ ನಲವತ್ತೊಂದನೆಯ ಅಧಿವೇಶನ
ಗುರುವಾರ, ದಿನಾಂಕ : 24 ನೇ ಸೆಪ್ಟೆಂಬರ್, 2020

ಶರಾವತಿ ಭೂಗರ್ಭ ಜಲ ವಿದ್ಯುತ್ ಯೋಜನೆ ಕುರಿತು

ಶ್ರೀ ಹೆಚ್. ಎಂ. ರಮೇಶಗೌಡ(ವಿಧಾನಸಭೆಯಿಂದ ಚುನಾಯಿತರಾದವರು) –

526 (473) ಮಾನ್ಯ ಮುಖ್ಯಮಂತ್ರಿಗಳು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ –

(ಅ) ಶರಾವತಿ ಭೂಗರ್ಭ ಜಲವಿದ್ಯುತ್ ಯೋಜನೆಯ ಡಿ.ಪಿ.ಆರ್ ನಡೆಸುವ ಪ್ರಸ್ತಾವನೆ ಸರ್ಕಾರದ ಮುಂದಿದೆಯೇ; ಇದ್ದಲ್ಲಿ, ಈ ಯೋಜನೆಯ ವಿವರಗಳೇನು;

(ಆ) ಶರಾವತಿ ಅಂತರ್ಗತ ಜಲವಿದ್ಯುತ್ ಯೋಜನೆಯಿಂದ ಎಷ್ಟು ಮೆಗಾ ವ್ಯಾಟ್ ವಿದ್ಯುತ್ ಉತ್ಪಾದನೆಯಾಗಲಿದೆ; ಈ ಯೋಜನೆಗೆ ಎಷ್ಟು ಖರ್ಚಾಗಲಿದೆ; (ವಿವರ ನೀಡುವುದು)

(ಇ) ಶರಾವತಿ ಅಂತರ್ಗತ ಜಲವಿದ್ಯುತ್ ಯೋಜನೆಯ ಜಿಯೋ ಟೆಕ್ನಿಕಲ್ ಸರ್ವೆ ನಡೆಸಲಾಗಿದೆಯೇ; ನಡೆಸಿದ್ದಲ್ಲಿ, ಅದರ ತಾಂತ್ರಿಕ ವರದಿಗಳೇನು;

(ಈ) ಶರಾವತಿ ಭೂಗರ್ಭ ಜಲವಿದ್ಯುತ್ ಯೋಜನೆಗೆ ಸ್ಥಳೀಯ ಜನರು ಮತ್ತು ಪರಿಸರವಾದಿಗಳಿಂದ ತೀವ್ರ ವಿರೋಧ ವ್ಯಕ್ತವಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ?